# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 08ನೇ ಜುಲೈ, 2014
(ಸಮಯ: ಬೆಳಗ್ಗೆ 11.00 ಗಂಟೆಗೆ)

-----

### 1. ಪ್ರಶ್ನೋತ್ತರ

**ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು** : **ಹನ್ನೆರಡನೇ ಪಟ್ಟಿ**

**ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು** : **ಹನ್ನೆರಡನೇ ಪಟ್ಟಿ**

### 2. ವಿತ್ತೀಯ ಕಾರ್ಯಕಲಾಪಗಳು

2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಯ ಮೇಲೆ ಮುಂದುವರೆದ ಚರ್ಚೆ,

| **ಬೇಡಿಕೆ ಸಂಖ್ಯೆ** | **ಬೇಡಿಕೆಯ ಹೆಸರು** |
| --- | --- |
| 14 | ಕಂದಾಯ |

### 3. ಗಮನ ಸೆಳೆಯುವ ಸೂಚನೆಗಳು

1. ಶ್ರೀ ವಿ. ಸುನೀಲ್ ಕುಮಾರ್ ಅವರು ಕಾರ್ಕಳ ತಾಲ್ಲೂಕಿನ ಬೈಲೂರು ಪರಿಸರ ಗ್ಯಾಸ್ ಅಥೋರಿಟಿ ಆಫ್ ಇಂಡಿಯಾ ಲಿಮಿಟೆಡ್ ಸಂಸ್ಥೆಯವರು ಸ್ಥಳೀಯವಾಗಿ ಯಾವುದೇ ಮಾಹಿತಿ ನೀಡದೆ ಸರ್ವೆ ಕಾರ್ಯ ನಡೆಸಿ ಗಡಿ ಗುರುತಿನ ಕಲ್ಲುಗಳನ್ನು ಹಾಕಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

2. ಶ್ರೀ ವೈ. ಎನ್. ರುದ್ರೇಶಗೌಡ ಅವರು ಬೇಲೂರು ತಾಲ್ಲೂಕಿನ ಬರಪೀಡಿತ ಪ್ರದೇಶಗಳಾದ ಮಾದೀಹಳ್ಳಿ ಮತ್ತು ಹಳೇಬೀಡು ಹೋಬಳಿಯಲ್ಲಿ ಕುಡಿಯುವ ನೀರಿಗಾಗಿ ಯಗಚಿ ಏತ ನೀರಾವರಿ ಯೋಜನೆಯು ಪೂರ್ಣಗೊಳ್ಳದಿರುವುದರಿಂದ ರೈತರಿಗೆ ತೊಂದರೆಯುಂಟಾಗುತ್ತಿರುವ ಬಗ್ಗೆ ಮಾನ್ಯ ಭಾರೀ ಮತ್ತು ಮಧ್ಯಮ ನೀರಾವರಿ ಸಚಿವರ ಗಮನ ಸೆಳೆಯುವುದು.

3. ಶ್ರೀ ತಿಪ್ಪರಾಜು ಅವರು ರಾಯಚೂರು ಜಿಲ್ಲಾ ಸರ್ಕಾರಿ ಆಸ್ಪತ್ರೆಯ ಅವ್ಯವಸ್ಥೆ ಹಾಗೂ ಕಳಪೆ ಗುಣಮಟ್ಟದ ಔಷಧಿಗಳಿಂದ ಸಾರ್ವಜನಿಕರಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

**ಪು.ತಿ.ನೋ.,**

4. ಶ್ರೀ ದುರ್ಯೋಧನ ಐಹೊಳೆ ಅವರು ಬೆಳಗಾವಿ ಜಿಲ್ಲೆಯ ರಾಯಬಾಗ ತಾಲ್ಲೂಕಿನ ಅಂಗನವಾಡಿ ಕೇಂದ್ರಗಳಲ್ಲಿ ರಾಷ್ಟ್ರೀಯ ಗ್ರಾಮೀಣ ಅಭಿವೃದ್ಧಿ ಯೋಜನೆಯಡಿ ಜಿಲ್ಲಾ ಪಂಚಾಯತಿಯು ಕೈಗೊಂಡಿರುವ ಕುಡಿಯುವ ನೀರಿನ ಯೋಜನೆ ಕಳಪೆಯಾಗಿರುವ ಹಾಗೂ ಅಂಗನವಾಡಿ ಕೇಂದ್ರಕ್ಕೆ ಅನುದಾನ ಬಿಡುಗಡೆಯಾಗಿದ್ದರೂ ಕಾಮಗಾರಿಗಳು ಪೂರ್ಣಗೊಳ್ಳದೆ ಇರುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್‌ರಾಜ್ ಸಚಿವರ ಗಮನ ಸೆಳೆಯುವುದು.

5. ಶ್ರೀ ಎಂ.ಟಿ. ಕೃಷ್ಣಪ್ಪ ಅವರು ರಾಜ್ಯದಲ್ಲಿರುವ ಕಿರಿಯ ಪುರುಷ ಆರೋಗ್ಯ ಸಹಾಯಕರ ಹುದ್ದೆಗಳ ನೇಮಕಾತಿ ಮಾಡದಿರುವುದರಿಂದ, ಹಳ್ಳಿ ಪ್ರದೇಶಗಳಲ್ಲಿನ ಜನಸಾಮಾನ್ಯರಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

6. ಶ್ರೀ ಕೆ.ಜಿ.ಬೋಪಯ್ಯ ಅವರು ವಿರಾಜಪೇಟೆ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿರುವ ಸರ್ಕಾರಿ ಆಸ್ಪತ್ರೆಗಳಲ್ಲಿ ಅನೇಕ ವೈದ್ಯರ ಹುದ್ದೆಗಳು ಖಾಲಿಯಿರುವುದರಿಂದ ಸಾರ್ವಜನಿಕರಿಗೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

7. ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು ಹಾಸನ ಜಿಲ್ಲೆಯ ಸಕಲೇಶಪುರ ತಾಲ್ಲೂಕಿನ ಕೆಲವು ಭಾಗವು ಸೇರಿದಂತೆ ಕೊಡಗು ಚಿಕ್ಕಮಗಳೂರು ಮತ್ತು ಶಿವಮೊಗ್ಗ ಜಿಲ್ಲೆಗಳಲ್ಲಿ ಏಲಕ್ಕಿ ಬೆಳೆಗಳಿಗೆ ಕೊಕ್ಕೆ ಕಂದು ಕಟ್ಟೆರೋಗ ತಗಲಿ ರೈತರಿಗೆ ನಷ್ಟ ಉಂಟಾಗಿರುವುದರಿಂದ ಸಹಕಾರಿ ಸಂಘಗಳು ಮತ್ತು ಸಹಕಾರಿ ಬ್ಯಾಂಕ್‌ಗಳಲ್ಲಿ ರೈತರು ಮಾಡಿದ ಸಾಲವನ್ನು ಮನ್ನಾ ಮಾಡುವ ಬಗ್ಗೆ ಮಾನ್ಯ ಸಹಕಾರ ಮತ್ತು ಸಕ್ಕರೆ ಸಚಿವರ ಗಮನ ಸೆಳೆಯುವುದು.

8. ಶ್ರೀಮತಿ ಶಶಿಕಲಾ ಅಣ್ಣಾಸಾಹೇಬ ಜೊಲ್ಲೆ ಅವರು ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ಸಂಸ್ಥೆಯ ವಾಹನಗಳಿಗೆ ಹೆದ್ದಾರಿಗಳಲ್ಲಿರುವ ಟೋಲ್‌ಗಳಲ್ಲಿ ಶುಲ್ಕ ಸಂಗ್ರಹಣೆಯಲ್ಲಿ ವಿನಾಯಿತಿ ನೀಡುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

9. ಶ್ರೀ ಕೆ.ಎಂ.ಶಿವಲಿಂಗೇಗೌಡ ಅವರು ಕಾಚೇನಹಳ್ಳಿ ಏತ ನೀರಾವರಿ ಯೋಜನೆಯ ೩ನೇ ಹಂತದ ಕಾಮಗಾರಿಗೆ ಶಂಕುಸ್ಥಾಪನೆಯಾಗಿ ೨೦ ವರ್ಷಗಳು ಕಳೆದರೂ ಈ ಯೋಜನೆಯನ್ನು ಕೈಗೆತ್ತಿಕೊಳ್ಳದಿರುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಸಚಿವರ ಗಮನ ಸೆಳೆಯುವುದು.

10. ಶ್ರೀ ಎಸ್.ಆರ್. ವಿಶ್ವನಾಥ್ ಅವರು ನಂದಿಬೆಟ್ಟದಲ್ಲಿ ಹುಟ್ಟಿ ಹೆಸರಘಟ್ಟ-ತಿಪ್ಪಗೊಂಡನಹಳ್ಳಿ ಮುಖಾಂತರ ಕಾವೇರಿ ನದಿ ಸಂಗಮ ಸೇರುವ ಅರ್ಕಾವತಿ ನದಿ ಮತ್ತು ಕುಮುದ್ವತಿ ನದಿಗಳ ಅಕ್ಕಪಕ್ಕದ 1 ಕಿ.ಮೀ. ವ್ಯಾಪ್ತಿಯಲ್ಲಿ ಯಾವುದೇ ಭೂಮಿಯನ್ನು ಕೃಷಿಯೇತರ ಉದ್ದೇಶಕ್ಕೆ ಬಳಕೆ ಮಾಡುವಂತಿಲ್ಲವೆಂದು ಹೊರಡಿಸಿರುವ ಸರ್ಕಾರದ ಅಧಿಸೂಚನೆಗೆ ತಿದ್ದುಪಡಿ ತರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

11. ಶ್ರೀ ಎಸ್. ಅಂಗಾರ ಅವರು ಸುಳ್ಯ ವಿಧಾನಸಭಾ ಕ್ಷೇತ್ರದ ಪುತ್ತೂರು ತಾಲ್ಲೂಕಿನ ಕಾಣಿಯೂರು ಸರ್ಕಾರಿ ಪ್ರಥಮ ದರ್ಜೆ ಕಾಲೇಜನ್ನು ಬೆಳಂದೂರಿಗೆ ಸ್ಥಳಾಂತರಿಸಿರುವುದರಿಂದ ಕಾಣಿಯೂರಿನ ವಿದ್ಯಾರ್ಥಿಗಳಿಗೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ ಮತ್ತು ಪ್ರವಾಸೋದ್ಯಮ ಸಚಿವರ ಗಮನ ಸೆಳೆಯುವುದು.

12. ಶ್ರೀ ಹೆಚ್.ಡಿ. ರೇವಣ್ಣ ಅವರು ಹೊಳೆನರಸೀಪುರ ವಿಧಾನಸಭಾ ಕ್ಷೇತ್ರಕ್ಕೆ ಸೇರಿದ ಹಾಸನ ತಾಲ್ಲೂಕಿನ ದುದ್ದ ಹೋಬಳಿಯ, ಆರ್.ಎಸ್.ಡಿ-1 ಉಪ ವಿಭಾಗ ಸಹಾಯಕ ಕಾರ್ಯಪಾಲಕ ಇಂಜಿನಿಯರ್ ರವರು ಹಾಸನದಲ್ಲಿ ಕೆಲಸ ನಿರ್ವಹಿಸುತ್ತಿರುವುದರಿಂದ ಉಂಟಾಗಿರುವ ತೊಂದರೆಯ ಬಗ್ಗೆ ಮಾನ್ಯ ಇಂಧನ ಸಚಿವರ ಗಮನ ಸೆಳೆಯುವುದು.

## 4. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1. ಶ್ರೀಯುತರುಗಳಾದ ಜಗದೀಶ್ ಶೆಟ್ಟರ, ಆರ್. ಅಶೋಕ್, ವಿಶ್ವೇಶ್ವರ ಹೆಗಡೆ ಕಾಗೇರಿ, ಬಸವರಾಜ ಬೊಮ್ಮಾಯಿ ಮತ್ತು ಗೋವಿಂದ ಎಂ.ಕಾರಜೋಳ ಹಾಗೂ ಇತರರು ಸಕಾಲದಲ್ಲಿ ಮಳೆ ಬಾರದೇ ರಾಜ್ಯದ ಹಲವು ಜಿಲ್ಲೆಗಳಲ್ಲಿ ಬರಗಾಲ ಆವರಿಸುತ್ತಿರುವ ಹಿನ್ನಲೆಯಲ್ಲಿ ರಾಜ್ಯ ಸರ್ಕಾರ ಕೈಗೊಳ್ಳಬೇಕಾಗಿದ್ದ ಮುಂಜಾಗ್ರತೆ ಕ್ರಮಗಳನ್ನು ಈವರೆಗೆ ಕೈಗೊಳ್ಳದಿರುವ ಬಗ್ಗೆ ಚರ್ಚೆ.

2. ಶ್ರೀಯುತರುಗಳಾದ ಕೆ.ಆರ್. ರಮೇಶ್‌ಕುಮಾರ್, ಹೆಚ್.ವೈ. ಮೇಟಿ ಮತ್ತು ಎನ್. ಚಲುವರಾಯಸ್ವಾಮಿ ಅವರುಗಳು 2006 ಮತ್ತು 2007ರ ಆರ್ಥಿಕ ವರ್ಷದಿಂದ ಇಲ್ಲಿಯವರೆಗೆ ಕರ್ನಾಟಕ ರಾಜ್ಯದಲ್ಲಿರುವ ಸ್ವಯಂ ಸೇವಾ ಸಂಸ್ಥೆಗಳು ವಿದೇಶದಿಂದ 1069 ಕೋಟಿ ರೂ.ಗಳ ದೇಣಿಗೆಯನ್ನು ಪಡೆದು ವಿದೇಶಿ ವಿನಿಮಯ ನಿಯಂತ್ರಣ ಕಾಯ್ದೆ ಇತ್ಯಾದಿಯನ್ನು ಉಲ್ಲಂಘಿಸಿರುವ ಬಗ್ಗೆ ಚರ್ಚೆ

## 5. ಅರ್ಧ ಗಂಟೆ ಕಾಲಾವಧಿ ಚರ್ಚೆ

ಶ್ರೀ ಸಿ.ಎನ್. ಬಾಲಕೃಷ್ಣ ಅವರು "ಚನ್ನರಾಯಪಟ್ಟಣ ತಾಲ್ಲೂಕಿನಲ್ಲಿ ಎಂ.ಎಸ್.ಐ.ಎಲ್ ಲಿಕ್ಕರ್ ಶಾಪ್‌ಗಳ" ಬಗ್ಗೆ ದಿನಾಂಕ: 02.07.2014 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ಎಂಟನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 118(1232)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)